ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಗುರುವಾರ, ದಿನಾಂಕ : 24 ನೇ ಸೆಪ್ಟೆಂಬರ್, 2020

ಸರಣಿ ಬ್ಯಾರೇಜ್ ಕಾಮಗಾರಿಯಲ್ಲಿ ವ್ಯಾಪಕ ಭ್ರಷ್ಟಾಚಾರ ಕುರಿತು

ಶ್ರೀ ರಘುನಾಥ್‌ರಾವ್ ಮಲ್ಕಾಪುರೆ(ವಿಧಾನಸಭೆಯಿಂದ ಚುನಾಯಿತರಾದವರು) –

524 (654) ಮಾನ್ಯ ಜಲಸಂಪನ್ಮೂಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ಬೀದರ್ ಜಿಲ್ಲೆಯ ಮಾಂಜ್ರಾ ಸರಣಿ ಬ್ಯಾರೇಜ್‌ಗಳಲ್ಲಿ ಗೇಟ್ ಸಮಸ್ಯೆಯಾಗಿ ನೀರು ಇಲ್ಲದಿರುವುದರ ಬಗ್ಗೆ ತನಿಖೆಗೆ ಹೈಕೋರ್ಟ್ ಆದೇಶಿಸಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಹಾಗಿದ್ದಲ್ಲಿ, ವಿವರವಾದ ಮಾಹಿತಿ ನೀಡುವುದು;

(ಆ) 04 ಬ್ಯಾರೇಜ್‌ಗಳ ನಿರ್ಮಾಣಕ್ಕೆ ಖರ್ಚು ಮಾಡಲಾಗಿರುವ ಹಣವೆಷ್ಟು; ಮತ್ತು ಯಾವ ಯಾವ ವರ್ಷದಲ್ಲಿ ಬ್ಯಾರೇಜ್‌ಗಳನ್ನು ನಿರ್ಮಾಣ ಮಾಡಲಾಗಿದೆ; (ವಿವರ ನೀಡುವುದು)

(ಇ) ಈ ಸರಣಿ ಬ್ಯಾರೇಜ್‌ಗಳ ನಿರ್ಮಾಣದಿಂದ ಒಟ್ಟು ಎಷ್ಟು ಎಕರೆ ಪ್ರದೇಶಕ್ಕೆ ನೀರಾವರಿ ಸೌಲಭ್ಯ ಕಲ್ಪಿಸಲಾಗಿದೆ; (ಸಂಪೂರ್ಣ ಮಾಹಿತಿ ನೀಡುವುದು)

(ಈ) ನೂರಾರು ಕೋಟಿ ರೂಪಾಯಿ ವೆಚ್ಚ ಮಾಡಿ ನಿರ್ಮಾಣ ಮಾಡಲಾದ ಯೋಜನೆಯಲ್ಲಿ ಅಕ್ರಮ ಮತ್ತು ಲೋಪದೋಷಗಳು ಉಂಟಾಗಲು ಕಾರಣವೇನು; ಇದಕ್ಕೆ ಕಾರಣರಾದವರುಗಳ ವಿರುದ್ಧ ಯಾವ ಕ್ರಮ ಕೈಗೊಳ್ಳಲಾಗುವುದು; (ಸಂಪೂರ್ಣ ಮಾಹಿತಿ ನೀಡುವುದು)

(ಉ) ಕೂಡಲೇ 4 ಬ್ಯಾರೇಜ್ ಗೇಟುಗಳನ್ನು ಸರಿಪಡಿಸಿ ರೈತರಿಗೆ ನೀರು ಸರಬರಾಜು ಮಾಡಲು ಸರ್ಕಾರ ಕೈಗೊಳ್ಳುವ ಕ್ರಮಗಳೇನು? (ಸಂಪೂರ್ಣ ಮಾಹಿತಿ ನೀಡುವುದು)